ಸದನದಲ್ಲಿ ಉತ್ತರಿಸುವ ಪ್ರಶ್ನೆ



**ಕರ್ನಾಟಕ ವಿಧಾನ ಪರಿಷತ್ತು**

ನೂರ ನಲವತ್ತೆರಡನೆಯ ಅಧಿವೇಶನ

ಬುಧವಾರ, ದಿನಾಂಕ: 09ನೇ ಡಿಸೆಂಬರ್, 2020

ಪೋಡಿ ಪ್ರಕರಣಗಳ ಬಗ್ಗೆ

ಶ್ರೀಮತಿ ಭಾರತಿ ಶೆಟ್ಟಿ (ನಾಮನಿರ್ದೇಶನ ಹೊಂದಿದವರು) -

ಡಾ. ವೈ.ಎ. ನಾರಾಯಣಸ್ವಾಮಿ (ಶಿಕ್ಷಕರ ಕ್ಷೇತ್ರ) -

42 (263+262) ಕಂದಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ-

(ಅ) ಕಂದಾಯ ಇಲಾಖೆಯಲ್ಲಿ ಬಾಕಿ ಇರುವ ಪೋಡಿ ಪ್ರಕರಣಗಳ ಸಂಖ್ಯೆ ಎಷ್ಟು; (ವಿವರಗಳನ್ನು ನೀಡುವುದು)

(ಆ) ಕಳೆದ 5 ವರ್ಷಗಳಿಂದ ಕಂದಾಯ ಇಲಾಖೆಯಲ್ಲಿ ಪೋಡಿಗಾಗಿ ಬಂದಿರುವ ಅರ್ಜಿಗಳ ಸಂಖ್ಯೆ ಎಷ್ಟು ; ಹಾಗೂ ಬಾಕಿ ಇರುವ ಪ್ರಕರಣಗಳ ಸಂಖ್ಯೆ ಎಷ್ಟು ;

(ಇ) ದೊಡ್ಡ ಪ್ರಮಾಣದಲ್ಲಿ ಪೋಡಿ ಪ್ರಕರಣಗಳು ಬಾಕಿ ಇರಲು ಕಾರಣವೇನು ;

(ಈ) ಬೆಂಗಳೂರು ನಗರ ಜಿಲ್ಲೆಯಲ್ಲಿ ಪೋಡಿಗಾಗಿ ಬಂದ ಅರ್ಜಿಗಳನ್ನು ವಿಲೇವಾರಿ ಮಾಡಲು ಸಂಬಂಧಪಟ್ಟ ಅಧಿಕಾರಿಗಳು ಲಕ್ಷಾಂತರ ರೂಪಾಯಿ ಬೇಡಿಕೆ ಇಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ ;

(ಉ) ಬಂದಿದ್ದಲ್ಲಿ ಅಂತಹ ಪ್ರಕರಣಗಳು ಎಷ್ಟು ; (ವಿವರಗಳನ್ನು ನೀಡುವುದು)

(ಊ) ನಿಗದಿತ ಸಮಯದಲ್ಲಿ ಪೋಡಿ ಪ್ರಕರಣಗಳನ್ನು ಇತ್ಯರ್ಥ ಮಾಡದೇ ವಿಳಂಬ ಮಾಡಿರುವ ಅಧಿಕಾರಿ/ನೌಕರರ ವಿರುದ್ಧ ಸರ್ಕಾರವು ತೆಗೆದುಕೊಂಡ ಕ್ರಮಗಳೇನು?